ಲಿಖಿತ ಮೂಲಕ ಉತ್ತರಿಸುವ



ಕರ್ನಾಟಕ ವಿಧಾನ ಪರಿಷತ್ತು
ನೂರ ನಲವತ್ತನೆಯ ಅಧಿವೇಶನ
ಬುಧವಾರ, ದಿನಾಂಕ : 04 ನೇ ಮಾರ್ಚ್, 2020

ಶಿವಮೊಗ್ಗ ಜಿಲ್ಲೆಯಲ್ಲಿನ ದೇವಸ್ಥಾನಗಳ ಜೀರ್ಣೋದ್ಧಾರಕ್ಕಾಗಿ ಅನುದಾನ ನೀಡಿರುವ ಕುರಿತು

ಶ್ರೀ ಆರ್. ಪ್ರಸನ್ನ ಕುಮಾರ್ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) :-

212 (307) ಮಾನ್ಯ ಮುಜರಾಯಿ ಹಾಗೂ ಮೀನುಗಾರಿಕೆ, ಬಂದರು ಮತ್ತು ಒಡನಾಡು ಜಲಸಾರಿಗೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಶಿವಮೊಗ್ಗ ಜಿಲ್ಲೆಯಲ್ಲಿ ಎಷ್ಟು ದೇವಸ್ಥಾನಗಳ ಜೀರ್ಣೋದ್ಧಾರಕ್ಕಾಗಿ ಸರ್ಕಾರದಿಂದ ಅನುದಾನ ನೀಡಲಾಗಿದೆ ; (ಕಳೆದ ಎರಡು ವರ್ಷಗಳ ತಾಲ್ಲೂಕುವಾರು ಮಾಹಿತಿ ನೀಡುವುದು)

(ಆ) ಜನಪ್ರತಿನಿಧಿಗಳಿಂದ ಹಾಗೂ ಸಾರ್ವಜನಿಕರಿಂದ ಅನುದಾನಕ್ಕಾಗಿ ಬೇಡಿಕೆಯನ್ನು ಸಲ್ಲಿಸುತ್ತಿದ್ದರೂ, ಅನುದಾನ ನೀಡದಿರುವುದರಿಂದ ಹೆಚ್ಚು ಹಣವನ್ನು ಆಯವ್ಯಯದಲ್ಲಿ ಪಡೆಯಲು ಅಗತ್ಯ ಕ್ರಮ ಕೈಗೊಳ್ಳಲಾಗುವುದೇ ;

(ಇ) ಈ ನಿಟ್ಟಿನಲ್ಲಿ ಸರ್ಕಾರ ಯಾವ ಕ್ರಮಗಳನ್ನು ಕೈಗೊಳ್ಳಲಿದೆ ?